ಬಾಗಿಲು ಮುಚ್ಚಿದ ಶುದ್ಧ ನೀರಿನ ಘಟಕಗಳು

ಶ್ರೀ ರಘುನಾಥ್ ರಾವ್ ಮಲ್ಕಾಪೂರೆ (ವಿಧಾನಸಭೆಯಿಂದ ಚುನಾಯಿತರಾದವರು)-

27 (226) ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ರಾಜ್ಯದಲ್ಲಿ ಪ್ರಾರಂಭದಿಂದ ಇದುವರೆವಿಗೂ ಎಷ್ಟು ಶುದ್ಧ ಕುಡಿಯುವ ನೀರಿನ ಘಟಕಗಳನ್ನು ನಿರ್ಮಾಣ ಮಾಡಲಾಗಿದೆ ; (ಜಿಲ್ಲಾವಾರು ಸಂಪೂರ್ಣ ವಿವರ ನೀಡುವುದು)

(ಆ) ಶುದ್ಧ ಕುಡಿಯುವ ನೀರಿನ ಘಟಕಗಳ ನಿರ್ಮಾಣಕ್ಕೆ ಸರ್ಕಾರ ಇದುವರೆಗೂ ಮಾಡಿರುವ ಖರ್ಚು ಎಷ್ಟು ; (ಮಾಹಿತಿ ನೀಡುವುದು)

(ಇ) ಸಾವಿರಾರು ಕೋಟಿ ರೂಪಾಯಿ ಖರ್ಚು ಮಾಡಿ ಶುದ್ಧ ನೀರಿನ ಘಟಕಗಳನ್ನು ನಿರ್ಮಾಣ ಮಾಡಿದ್ದಾಗ್ಯೂ ಅವುಗಳು ಸರಿಯಾಗಿ ಕಾರ್ಯನಿರ್ವಹಿಸದೇ ಹಾಳಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಸರ್ಕಾರ ಕೈಗೊಂಡಿರುವ ಕ್ರಮಗಳೇನು ;

(ಈ) ಶುದ್ಧ ನೀರಿನ ಘಟಕಗಳನ್ನು ವ್ಯವಸ್ಥಿತವಾಗಿ ನಿರ್ವಹಿಸದಿರುವುದಕ್ಕೆ ಕಾರಣರಾದವರ ವಿರುದ್ಧ ಸರ್ಕಾರ ಯಾವ ಕ್ರಮಕೈಗೊಂಡಿದೆ ; (ವಿವರ ನೀಡುವುದು)

(ಉ) ಶುದ್ಧ ನೀರಿನ ಘಟಕಗಳು ಸ್ಥಾಪನೆಯಾದ ದಿನದಿಂದ ಇದುವರೆಗೂ ಕಾರ್ಯಾರಂಭ ಮಾಡದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ರಾಜ್ಯದಾದ್ಯಂತ ಈ ರೀತಿ ಕಾರ್ಯಾರಂಭ ಮಾಡದಿರುವ ಘಟಕಗಳ ಸಂಖ್ಯೆ ಎಷ್ಟು ? (ಜಿಲ್ಲಾವಾರು ಸಂಪೂರ್ಣ ಮಾಹಿತಿ ನೀಡುವುದು)